## ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : 134
ಮಾನ್ಯ ಸದಸ್ಯರ ಹೆಸರು : ಶ್ರೀಮತಿ ವೀಣಾ ಅಚ್ಚಯ್ಯ (ವಿಧಾನ ಸಭೆಯಿಂದ ಚುನಾಯಿತರಾದವರು)
ಉತ್ತರಿಸಬೇಕಾದ ದಿನಾಂಕ : 21.09.2020
ಉತ್ತರಿಸಬೇಕಾದ ಸಚಿವರು : ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು

| ಕ್ರ. ಸಂ | ಪ್ರಶ್ನೆಗಳು | ಉತ್ತರ |
|---|---|---|
| ಅ) | ಕೊಡಗು ಜಿಲ್ಲೆಯಲ್ಲಿ ಡಯಾಲಿಸಿಸ್ ಕೇಂದ್ರಗಳನ್ನು ತೆರೆಯಲಾಗಿದೆಯೇ; | ಹೌದು. ತೆರೆಯಲಾಗಿದೆ. |
| ಆ) | ಇದ್ದಲ್ಲಿ, ಪ್ರಸ್ತುತ ಕಾರ್ಯನಿರ್ವಹಿಸುತ್ತಿರುವ ಕೇಂದ್ರಗಳ ಸಂಖ್ಯೆ ಎಷ್ಟು; ಮತ್ತು ಅವು ಯಾವುವು; | 03 ಡಯಾಲಿಸಿಸ್ ಕೇಂದ್ರಗಳು ಕಾರ್ಯನಿರ್ವಹಿಸುತ್ತಿವೆ.<br>ಜಿಲ್ಲಾ ಆಸ್ಪತ್ರೆ, ಕೊಡಗು ಸಾರ್ವಜನಿಕ ಆಸ್ಪತ್ರೆ, ವಿರಾಜಪೇಟೆ ಮತ್ತು ಸಾರ್ವಜನಿಕ ಆಸ್ಪತ್ರೆ, ಸೋಮವಾರಪೇಟೆ. |
| ಇ) | ಸದರಿ ಕೇಂದ್ರಗಳು ಪ್ರತಿದಿನ ಎಷ್ಟು ರೋಗಿಗಳಿಗೆ ಸೇವೆ ನೀಡುವ ಸಾಮರ್ಥ್ಯ ಹೊಂದಿವೆ; ಹಾಗೂ ಸದರಿ ಕೇಂದ್ರಗಳಲ್ಲಿ ಕಳೆದ ಮೂರು ತಿಂಗಳಲ್ಲಿ ಸೇವೆ ಪಡೆದ ರೋಗಿಗಳ ಸಂಖ್ಯೆ ಎಷ್ಟು; (ಪ್ರತಿ ದಿನದ ವಿವರ ನೀಡುವುದು) | ಕೊಡಗು ಜಿಲ್ಲಾ ಆಸ್ಪತ್ರೆಯಲ್ಲಿ 21 ರೋಗಿಗಳಿಗೆ, ವಿರಾಜಪೇಟೆ ಸಾರ್ವಜನಿಕ ಆಸ್ಪತ್ರೆಯಲ್ಲಿ 12 ರೋಗಿಗಳಿಗೆ ಮತ್ತು ಸೋಮವಾರ ಪೇಟೆ ಸಾರ್ವಜನಿಕ ಆಸ್ಪತ್ರೆಯಲ್ಲಿ 09 ರೋಗಿಗಳಿಗೆ ಚಿಕಿತ್ಸೆ ನೀಡಲಾಗುತ್ತಿದೆ.<br>ಕಳೆದ ಮೂರು ತಿಂಗಳಲ್ಲಿ 99 ರೋಗಿಗಳು ಡಯಾಲಿಸಿಸ್ ಚಿಕಿತ್ಸೆಯನ್ನು ಪಡೆದಿರುತ್ತಾರೆ. |
| ಈ | ಸದರಿ ಕೇಂದ್ರಗಳಲ್ಲಿ ಇರಬೇಕಾದ ಮೂಲ ಸೌಕರ್ಯಗಳೇನು; ಹಾಗೂ ಕರ್ತವ್ಯ ನಿರ್ವಹಿಸಬೇಕಾದ ವೈದ್ಯ ಹಾಗೂ ಇತರ ಸಿಬ್ಬಂದಿಗಳ ಸಂಖ್ಯೆ ಎಷ್ಟು; ಆ ಪ್ರಮಾಣದಲ್ಲಿ ವೈದ್ಯರನ್ನು ನಿಯೋಜಿಸಲಾಗಿದೆಯೇ? | ಇಲಾಖೆಯ ವತಿಯಿಂದ ಸ್ಥಳ, ವಿದ್ಯುತ್ ಹಾಗೂ ನೀರಿನ ಸೌಲಭ್ಯ ಒದಗಿಸಲಾಗುತ್ತಿದೆ. ಏಜೆನ್ಸಿಯವರಿಂದ ಪ್ರತಿ ಜಿಲ್ಲಾ ಆಸ್ಪತ್ರೆಯಲ್ಲಿ 10 ಹಾಗೂ ತಾಲ್ಲೂಕು ಆಸ್ಪತ್ರೆಗಳಲ್ಲಿ 02 ಡಯಾಲಿಸಿಸ್ ಯಂತ್ರಗಳು, R.O ನೀರಿನ ವ್ಯವಸ್ಥೆ, ಡಯಾಲಿಸಿಸ್ ಪರಿಕರಗಳು ಹಾಗೂ ಮಾನವ ಸಂಪನ್ಮೂಲವನ್ನು ಒದಗಿಸಬೇಕಾಗಿರುತ್ತದೆ.<br>ಪ್ರತಿ ಡಯಾಲಿಸಿಸ್ ಕೇಂದ್ರದಲ್ಲಿ ಪ್ರತಿ 03 ಡಯಾಲಿಸಿಸ್ ಯಂತ್ರಗಳಿಗೆ ಪ್ರತಿ ಪಾಳಿಯಲ್ಲಿ 1-ಟೆಕ್ನಿಷಿಯನ್, 1- ಶುಶ್ರೂಷಕರು ಮತ್ತು 1- ಗ್ರೂಪ್-"ಡಿ" ನೌಕರರು ಹಾಗೂ 1-ವೈದ್ಯರು ಪ್ರತಿ ಡಯಾಲಿಸಿಸ್ ಕೇಂದ್ರದಲ್ಲಿ ಕಾರ್ಯನಿರ್ವಹಿಸಬೇಕಾಗಿರುತ್ತದೆ. ಸದರಿ ಪ್ರಮಾಣದಲ್ಲಿ ವೈದ್ಯರನ್ನು ನಿಯೋಜಿಸಿರುವುದಿಲ್ಲ. |

**ಸಂಖ್ಯೆ: ಆಕುಕ 41 ಎಸ್.ಟಿ.ಕ್ಯೂ 2020**

(ಬಿ. ಶ್ರೀರಾಮುಲು)

ಆರೋಗ್ಯ ಮತ್ತು ಕುಟುಂಬ ಕಲ್ಯಾಣ ಹಾಗೂ
ಹಿಂದುಳಿದ ವರ್ಗಗಳ ಕಲ್ಯಾಣ ಸಚಿವರು